ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 13 ನೇ ಮಾರ್ಚ್, 2020

ಹಿಂದಿನ ಬಜೆಟ್‌ನಲ್ಲಿ ಮಂಗಳೂರು ಪ್ರಾದೇಶಿಕ ಸಾರಿಗೆ ಇಲಾಖೆಗೆ ಘೋಷಿಸಲಾದ ಯೋಜನೆ ಬಗ್ಗೆ

ಶ್ರೀ ಐವನ್ ಡಿ'ಸೋಜಾ(ನಾಮನಿರ್ದೇಶನ ಹೊಂದಿದವರು):-

850 (912) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮಂಗಳೂರು ಪ್ರಾದೇಶಿಕ ಸಾರಿಗೆ ಇಲಾಖೆ ವ್ಯಾಪ್ತಿಯಲ್ಲಿ ಈ ಹಿಂದೆ ಬಜೆಟ್‌ನಲ್ಲಿ ಘೋಷಿಸಲಾದ ಯೋಜನೆಗಳನ್ನು ಇನ್ನೂ ಅನುಷ್ಠಾನಗೊಳಿಸದಿರಲು ಕಾರಣವೇನು; (ವಿವರ ಒದಗಿಸುವುದು)

(ಆ) ಪ್ರಾದೇಶಿಕ ಸಾರಿಗೆ ಇಲಾಖೆಯಲ್ಲಿ ಸಿಬ್ಬಂದಿಗಳ ಕೊರತೆಯಿಂದ ಏಜೆಂಟರುಗಳೇ ಕಛೇರಿಯಲ್ಲಿ ಕಾರ್ಯನಿರ್ವಹಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಕೈಗೊಂಡ ಕ್ರಮಗಳೇನು ;

(ಇ) ಸಾರಿಗೆ ಇಲಾಖೆಯಿಂದ ವಾರ್ಷಿಕ ಸರ್ಕಾರಕ್ಕೆ ಬರುವ ಆದಾಯವೆಷ್ಟು ; (ವಿವರ ಒದಗಿಸುವುದು)

(ಈ) ಮಂಗಳೂರು ನಗರದಲ್ಲಿರುವ ಪ್ರಾದೇಶಿಕ ಸಾರಿಗೆ ಅಧಿಕಾರಿಯವರ ಕಛೇರಿ ಮತ್ತು ಇತರ ಕಛೇರಿಗಳನ್ನು ನಗರದ ಹೊರವಲಯಕ್ಕೆ ಸ್ಥಳಾಂತರಿಸಲು ನಿರ್ಣಯಿಸಲಾಗಿದ್ದರೂ ಕ್ರಮ ಕೈಗೊಳ್ಳದೇ ಇರಲು ಕಾರಣವೇನು ? (ವಿವರ ಒದಗಿಸುವುದು)